


# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 29-03-2021 ಪ್ರಶ್ನೆ ಸಂಖ್ಯೆ : 2012 (2379)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎಂ. ನಾರಾಯಣಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 29-03-2021

ಉತ್ತರಿಸುವ ಸಚಿವರು: ಅರಣ್ಯ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರು

ವಿಷಯ : ಸಾಂಸ್ಕೃತಿಕ ಕಾರ್ಯಕ್ರಮಗಳಿಗೆ ನೀಡಲಾಗಿರುವ ಅನುದಾನದ ಬಗ್ಗೆ

(ಅ) ಕಳೆದ ಮೂರು ವರ್ಷಗಳಲ್ಲಿ ಕನ್ನಡ ಮತ್ತು ಸಂಸ್ಕೃತಿ ಇಲಾಖೆಗೆ ಸಾಂಸ್ಕೃತಿಕ ಸಂಘ ಸಂಸ್ಥೆಗಳಿಗೆ, ಸಾಂಸ್ಕೃತಿಕ ಕಾರ್ಯಕ್ರಮಗಳಿಗೆ ನೀಡಲಾಗಿರುವ ಅನುದಾನವೆಷ್ಟು ; (ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ಕಳೆದ ಮೂರು ವರ್ಷಗಳಲ್ಲಿ ರಾಜ್ಯದ ಸಾಂಸ್ಕೃತಿಕ ಇಲಾಖೆ ವತಿಯಿಂದ ಕಳುಹಿಸಲಾಗುತ್ತಿರುವ ಸಾಂಸ್ಕೃತಿಕ ಕಲಾತಂಡಗಳು ಯಾವುವು; ಕಲಾ ತಂಡಗಳಿಗೆ ನೀಡಲಾಗುತ್ತಿರುವ ಗೌರವಧನ ಎಷ್ಟು ; (ಜಿಲ್ಲಾವಾರು ಮಾಹಿತಿ ನೀಡುವುದು)

(ಇ) ಕಳೆದ ಮೂರು ವರ್ಷಗಳಲ್ಲಿ ಹೊರ ರಾಜ್ಯ/ ಹೊರ ರಾಷ್ಟ್ರಗಳಲ್ಲಿ ಸಾಂಸ್ಕೃತಿಕ ಸಮಾರಂಭಗಳನ್ನು ಉತ್ತೇಜಿಸಲು ಸರ್ಕಾರ ಕೈಗೊಂಡ ಕಾರ್ಯಕ್ರಮಗಳು ಯಾವುವು ? (ಜಿಲ್ಲಾವಾರು ಮಾಹಿತಿ ನೀಡುವುದು)